# ಕರ್ನಾಟಕ ವಿಧಾನ ಪರಿಷತ್ತು

**ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ** : 1289

**ಮಾನ್ಯ ಸದಸ್ಯರ ಹೆಸರು** : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

**ಉತ್ತರಿಸುವ ಸಚಿವರು** : ಪ್ರವಾಸೋದ್ಯಮ ಮತ್ತು ಪರಿಸರ ಹಾಗೂ ಜೀವಿಶಾಸ್ತ್ರ ಸಚಿವರು

**ಉತ್ತರಿಸುವ ದಿನಾಂಕ** : 15-03-2021

*******

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಪ್ರವಾಸೋದ್ಯಮವನ್ನು ಅಭಿವೃದ್ಧಿಪಡಿಸಲು "ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್ ಫೋರ್ಸ್" ಯೋಜನೆ ಸ್ಥಾಪಿಸಲಾಗಿದೆಯೇ; (ಯೋಜನೆಯ ವಿವರ ನೀಡುವುದು. | ಶ್ರೀಮತಿ ಸುಧಾಮೂರ್ತಿ, ಅಧ್ಯಕ್ಷರು, ಇನ್ಫೋಸಿಸ್ ಪ್ರತಿಷ್ಠಾನ (ರಿ.) ಇವರ ಅಧ್ಯಕ್ಷತೆಯಲ್ಲಿ ವಿವಿಧ ಅಧಿಕಾರಿಗಳು ಹಾಗೂ ಅಧಿಕಾರೇತರ ಸದಸ್ಯರನ್ನು ಒಳಗೊಂಡ "ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್ ಫೋರ್ಸ್" ಅನ್ನು ಸರ್ಕಾರದ ಆದೇಶ ಸಂಖ್ಯೆ: ಟಿಒಆರ್ 92 ಟಿಡಿಪಿ 2019, ದಿನಾಂಕ: 21-06-2019ರಲ್ಲಿ ರಚಿಸಲಾಗಿರುತ್ತದೆ. ರಾಜ್ಯದಲ್ಲಿ ಪ್ರವಾಸೋದ್ಯಮವನ್ನು ಅಭಿವೃದ್ಧಿಪಡಿಸಿ ರಾಷ್ಟ್ರೀಯ ಮತ್ತು ಅಂತರರಾಷ್ಟ್ರೀಯ ಪ್ರವಾಸಿಗರು ಭೇಟಿ ನೀಡುವ ಸ್ಥಳಗಳಲ್ಲಿ ರಾಷ್ಟ್ರೀಯ ಪಟ್ಟಿಯಲ್ಲಿ ಕರ್ನಾಟಕವನ್ನು ಮೊದಲ 5ನೇ ಸ್ಥಾನಗಳೊಳಗೆ ತರುವ ನಿಟ್ಟಿನಲ್ಲಿ ರಾಜ್ಯದಲ್ಲಿ ಪ್ರವಾಸೋದ್ಯಮ ಮತ್ತು ಸಾಂಸ್ಕೃತಿಕ ಅಭಿವೃದ್ಧಿಗೆ ಸಂಬಂಧಿಸಿದಂತೆ ಕೈಗೊಳ್ಳಬೇಕಾದ ಕ್ರಮಗಳ ಕುರಿತು ವಿಶ್ಲೇಷಣೆ ನಡೆಸಿ ಸರ್ಕಾರಕ್ಕೆ ವಿವರವಾದ ವರದಿಯನ್ನು ಸಲ್ಲಿಸುವ ಉದ್ದೇಶದಿಂದ ಈ ಟಾಸ್ಕ್ ಫೋರ್ಸ್ ರಚಿಸಲಾಗಿದ್ದು, ಇದರ ಕಾರ್ಯವ್ಯಾಪ್ತಿ ಈ ಕೆಳಕಂಡಂತಿದೆ.<br><br>1. ರಾಜ್ಯದಲ್ಲಿರುವ ಪ್ರವಾಸಿ ತಾಣಗಳಲ್ಲಿ ಅಂತರರಾಷ್ಟ್ರೀಯ ಮಟ್ಟದ ಮೂಲಭೂತ ಸೌಕರ್ಯಗಳನ್ನು ಒದಗಿಸುವ ಸಂಬಂಧ ಅಗತ್ಯ ಕ್ರಮಗಳ ಬಗ್ಗೆ ವಿಶ್ಲೇಷಿಸಿ ಶಿಫಾರಸ್ಸು ಮಾಡುವುದು.<br>2. ರಾಜ್ಯದಲ್ಲಿರುವ ಹೆಚ್ಚಿನ ಪ್ರಚಾರವಿಲ್ಲದ ಪ್ರವಾಸಿ ತಾಣಗಳನ್ನು ಗುರುತಿಸಿ, ಅಂತರರಾಷ್ಟ್ರೀಯ ಪ್ರವಾಸಿ ತಾಣವನ್ನಾಗಿ ಅಭಿವೃದ್ಧಿಪಡಿಸಲು ಮಾರ್ಗದರ್ಶನ ನೀಡುವುದು.<br>3. ರಾಜ್ಯದಲ್ಲಿರುವ ನೈಸರ್ಗಿಕ ಸಾಂಸ್ಕೃತಿಕ ಮತ್ತು ಐತಿಹಾಸಿಕ ವಲಯಗಳಲ್ಲಿ ಪ್ರವಾಸೋದ್ಯಮದ ಹೆಚ್ಚು ಅಭಿವೃದ್ಧಿಯನ್ನು ಗಮನದಲ್ಲಿರಿಸಿ ಹಾಗೂ ಪ್ರದರ್ಶನ ನೀಡುವ ಮಾರ್ಗಗಳ ಬಗ್ಗೆ ಶಿಫಾರಸ್ಸು ಮಾಡುವುದು.<br>4. ಪ್ರವಾಸಿ ತಾಣಗಳಲ್ಲಿ ಮಾನವ ಸಂಪನ್ಮೂಲ ಹಾಗೂ ಕೌಶಲ್ಯವನ್ನು ಅಭಿವೃದ್ಧಿಗೊಳಿಸುವ ಬಗ್ಗೆ ವಿಶೇಷ ಶಿಫಾರಸ್ಸು ಮಾಡುವುದು.<br>5. ರಾಜ್ಯದ ಪ್ರಮುಖ ಹೆದ್ದಾರಿಗಳಲ್ಲಿ ಪ್ರವಾಸಿಗರಿಗೆ ರಸ್ತೆ ಬದಿ ಸೌಕರ್ಯ ಒದಗಿಸುವ ಬಗ್ಗೆ ಪರಿಶೀಲಿಸಿ ಶಿಫಾರಸ್ಸು ಮಾಡುವುದು.<br>6. ರಾಜ್ಯದಲ್ಲಿ ಆಚರಿಸಬಹುದಾದ ಉತ್ಸವಗಳ ಬಗ್ಗೆ ವಿಶ್ಲೇಷಿಸಿ ಸಲಹೆ ನೀಡುವುದು.<br>7. ಪ್ರವಾಸೋದ್ಯಮ ವಲಯವನ್ನು ಅಭಿವೃದ್ಧಿಪಡಿಸಲು ಇತರೆ ಸಲಹೆ / ಶಿಫಾರಸ್ಸುಗಳನ್ನು ಮಾಡುವುದು. |

| | | |
|---|---|---|
| ಆ) | ಈ ಯೋಜನೆಯಡಿಯಲ್ಲಿ ರಾಜ್ಯಕ್ಕೆ ಹೆಚ್ಚಿನ ಪ್ರವಾಸಿಗರನ್ನು ಆಕರ್ಷಿಸಲು ತೆಗೆದುಕೊಂಡ ಕ್ರಮಗಳೇನು; | ಸದರಿ ಸಮಿತಿಯು ಈವರೆಗೆ ಪ್ರಾಥಮಿಕ ಹಂತದ ಎರಡು ಸಭೆಗಳನ್ನು ದಿನಾಂಕ: 09-09-2019 ಹಾಗೂ 25-10-2019ಗಳಂದು ನಡೆಸಿರುತ್ತದೆ. ನಂತರ, ಕೋವಿಡ್-19ರ ಹಿನ್ನೆಲೆಯಲ್ಲಿ ಸಭೆಗಳನ್ನು ನಡೆಸಲು ಸಾಧ್ಯವಾಗಿರುವುದಿಲ್ಲ. |
| ಇ) | ರಾಜ್ಯದ ಪ್ರವಾಸೋದ್ಯಮದ ಸರ್ವತೋಮುಖ ಅಭಿವೃದ್ಧಿಗಾಗಿ ಮೀಸಲಿಟ್ಟಿರುವ ಹಣವೆಷ್ಟು; | ರಾಜ್ಯದ ಪ್ರವಾಸೋದ್ಯಮ ಸವತೋರ್ಮುಖ ಅಭಿವೃದ್ಧಿಗಾಗಿ 2020-21ನೇ ಸಾಲಿನಲ್ಲಿ ಮೀಸಲಿಟ್ಟಿದ್ದ ಅನುದಾನ ರೂ.161.56 ಕೋಟಿಗಳಾಗಿರುತ್ತದೆ. |
| ಈ) | ಸದರಿ ಯೋಜನೆಯಡಿಯಲ್ಲಿ ಉತ್ತರ ಕರ್ನಾಟಕದ ಯಾವ ಯಾವ ಪ್ರವಾಸಿ ಕೇಂದ್ರಗಳನ್ನು ಅಭಿವೃದ್ಧಿಪಡಿಸಲಾಗುವುದು? | 'ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್ ಫೋರ್ಸ್" ನೀಡುವ ವರದಿಯ ಆಧಾರದ ಮೇಲೆ ಉತ್ತರ ಕರ್ನಾಟಕದ ಪ್ರವಾಸಿ ಕೇಂದ್ರಗಳನ್ನೂ ಒಳಗೊಂಡಂತೆ ರಾಜ್ಯದ ಪ್ರವಾಸಿ ಕೇಂದ್ರಗಳನ್ನು ಅಭಿವೃದ್ಧಿಪಡಿಸಲು ಅಗತ್ಯ ಕ್ರಮವಹಿಸಲಾಗುವುದು. |

ಸಂಖ್ಯೆ: ಟಿಓಆರ್ 38 ಟಿಡಿವಿ 2021

(ಸಿ.ಪಿ.ಯೋಗೇಶ್ವರ)
ಪ್ರವಾಸೋದ್ಯಮ ಮತ್ತು ಪರಿಸರ
ಹಾಗೂ ಜೀವಿಶಾಸ್ತ್ರ ಸಚಿವರು